# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ — 376
ಸದಸ್ಯರ ಹೆಸರು — ಶ್ರೀ ಜಿ.ರಘು ಆಚಾರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)
ಉತ್ತರಿಸುವ ದಿನಾಂಕ — 06-03-2020
ಉತ್ತರಿಸುವವರು — ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ಚಿತ್ರದುರ್ಗ ಹಾಗೂ ದಾವಣಗೆರೆ ಜಿಲ್ಲಾ ಪಂಚಾಯತ್ ವ್ಯಾಪ್ತಿಯಲ್ಲಿ ಬರುವ ಗ್ರಾಮ ಪಂಚಾಯಿತಿಗಳ ಸಂಖ್ಯೆ ಎಷ್ಟು? ಅದರಲ್ಲಿ ಸ್ವಂತ ಕಟ್ಟಡ ಹೊಂದಿರುವ ಗ್ರಾಮ ಪಂಚಾಯಿತಿಗಳ ಸಂಖ್ಯೆ ಎಷ್ಟು? | ಚಿತ್ರದುರ್ಗ ಜಿಲ್ಲೆಯಲ್ಲಿ ಒಟ್ಟು 189 ಗ್ರಾಮ ಪಂಚಾಯಿತಿಗಳಿರುತ್ತವೆ. ಸ್ವಂತ ಕಟ್ಟಡ ಹೊಂದಿರುವ ಗ್ರಾಮ ಪಂಚಾಯಿತಿಗಳ ಸಂಖ್ಯೆ:186.<br><br>ದಾವಣಗೆರೆ ಜಿಲ್ಲೆಯಲ್ಲಿ ಒಟ್ಟು 196 ಗ್ರಾಮ ಪಂಚಾಯಿತಿಗಳಿರುತ್ತವೆ. ಸ್ವಂತ ಕಟ್ಟಡ ಹೊಂದಿರುವ ಗ್ರಾಮ ಪಂಚಾಯಿತಿಗಳ ಸಂಖ್ಯೆ:188. |
| ಆ) | ಸ್ವಂತ ಕಟ್ಟಡ ಇಲ್ಲದ ಗ್ರಾಮ ಪಂಚಾಯಿತಿಗಳಿಗೆ ಸ್ವಂತ ಕಟ್ಟಡ ಒದಗಿಸಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು? (ವಿವರ ನೀಡುವುದು) | ಹೊಸ ಗ್ರಾಮ ಪಂಚಾಯತಿಗಳಿಗೆ ಕಛೇರಿ ಕಟ್ಟಡಗಳನ್ನು ನಿರ್ಮಿಸಲು ರೂ 40.00 ಲಕ್ಷಗಳ ಅಂದಾಜು ವೆಚ್ಚದಲ್ಲಿ ಯೋಜನೆ ರೂಪಿಸಲಾಗಿದೆ. ಈ ಪೈಕಿ ಸರ್ಕಾರದ ಅನುದಾನ ರೂ.20.00 ಲಕ್ಷ, ಮಹಾತ್ಮ ಗಾಂಧಿ ರಾಷ್ಟ್ರೀಯ ಉದ್ಯೋಗ ಖಾತರಿ ಯೋಜನೆಯಡಿ ರೂ.16.25 ಲಕ್ಷ ಹಾಗೂ 14ನೇ ಹಣಕಾಸು ಯೋಜನೆ ಅಥವಾ ಗ್ರಾಮ ಪಂಚಾಯತಿಗಳ ಸ್ವಂತ ಸಂಪನ್ಮೂಲದಡಿ ಉಳಿಕೆಯಾಗಿರುವ ರೂ.3.75 ಲಕ್ಷಗಳನ್ನು ಬಳಸಿಕೊಳ್ಳಲು ಅವಕಾಶ ಕಲ್ಪಿಸಲಾಗಿದೆ.<br><br>ಈ ಉದ್ದೇಶಕ್ಕಾಗಿ ಚಿತ್ರದುರ್ಗ ಜಿಲ್ಲೆಯಲ್ಲಿ ನೂತನವಾಗಿ ಸೃಜನೆಯಾಗಿರುವ ಬ್ಯಾಲಹಾಳ್, ಗೊಡಬನಾಳ್ ಹಾಗೂ ಬ್ಯಾಡರಹಳ್ಳಿ ಗ್ರಾಮ ಪಂಚಾಯಿತಿಗಳ ನೂತನ ಕಟ್ಟಡ ನಿರ್ಮಾಣಕ್ಕಾಗಿ ತಲಾ 1 ಗ್ರಾಮ ಪಂಚಾಯತಿಗೆ ರೂ.10.00 ಲಕ್ಷದಂತೆ ಒಟ್ಟು ರೂ.30.00 ಲಕ್ಷಗಳನ್ನು ಸರ್ಕಾರದಿಂದ ಬಿಡುಗಡೆ ಮಾಡಲಾಗಿದೆ.<br><br>ದಾವಣಗೆರೆ ಜಿಲ್ಲೆಯಲ್ಲಿ ನೂತನವಾಗಿ ಸೃಜನೆಯಾಗಿರುವ ಶ್ರೀರಾಮನಗರ, ಹಳೇಬಾತಿ, ಉಕ್ಕಡಗಾತ್ರಿ, ಕಡತಿ ಮತ್ತು ಲಕ್ಷ್ಮೀಪುರ ಗ್ರಾಮ ಪಂಚಾಯಿತಿಗಳ ನೂತನ ಕಟ್ಟಡ ನಿರ್ಮಾಣಕ್ಕಾಗಿ ತಲಾ 1 ಗ್ರಾಮ ಪಂಚಾಯತಿಗೆ ರೂ.10.00 ಲಕ್ಷದಂತೆ ಒಟ್ಟು ರೂ.50.00 ಲಕ್ಷಗಳನ್ನು ಸರ್ಕಾರದಿಂದ ಬಿಡುಗಡೆ ಮಾಡಲಾಗಿದೆ. |

ಸಂ. ಗ್ರಾಅಪ 231 ಗ್ರಾಪಂಅ 2020

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು ಪಂ.ರಾಜ್ ಸಚಿವರು.